ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಶುಕ್ರವಾರ, ದಿನಾಂಕ : 13 ನೇ ಮಾರ್ಚ್, 2020

ಪ್ರವಾಸೋದ್ಯಮ ಇಲಾಖೆಯಿಂದ ತುಮಕೂರು ಜಿಲ್ಲೆಗೆ ಬಿಡುಗಡೆಯಾದ ಅನುದಾನವನ್ನು ಬೇರೆಡೆಗೆ ಬದಲಾವಣೆ ಮಾಡಿರುವ ಬಗ್ಗೆ

ಶ್ರೀ ಕೆ. ಎ. ತಿಪ್ಪೇಸ್ವಾಮಿ(ನಾಮನಿರ್ದೇಶನ ಹೊಂದಿದವರು):-

894 (1089) ಮಾನ್ಯ ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ 03 ವರ್ಷಗಳಲ್ಲಿ ತುಮಕೂರು ಜಿಲ್ಲೆಯಲ್ಲಿ ಪ್ರವಾಸೋದ್ಯಮ ಇಲಾಖೆಯಿಂದ ಕೈಗೊಂಡಿರುವ ಕಾಮಗಾರಿಗಳಿಗೆ ಬಿಡುಗಡೆ ಮಾಡಿರುವ ಅನುದಾನವೆಷ್ಟು ಹಾಗೂ ಪ್ರವಾಸೋದ್ಯಮ ಇಲಾಖೆಯಿಂದ ನೀಡಿದ ಕಾಮಗಾರಿಗಳ ಅನುದಾನವನ್ನು ಇತ್ತೀಚಿನ ದಿನಗಳಲ್ಲಿ ಬದಲಾವಣೆ ಮಾಡಿ ಬೇರೆ ಜಿಲ್ಲೆಯ ಕಾಮಗಾರಿಗಳಿಗೆ ಹಾಗೂ ಬೇರೆ ಕಾಮಗಾರಿಗಳಿಗೆ ನೀಡುವುದು ನಿಜವೇ ; ಇಂತಹ ಬದಲಾವಣೆಗೆ ಕಾರಣಗಳೇನು ; (ತಾಲ್ಲೂಕುವಾರು ಸಂಪೂರ್ಣ ಮಾಹಿತಿ ನೀಡುವುದು)

(ಆ) ಪ್ರವಾಸೋದ್ಯಮ ಇಲಾಖೆಯಿಂದ ಕಳೆದ 03 ವರ್ಷಗಳಲ್ಲಿ ತುಮಕೂರು ಜಿಲ್ಲೆಯಲ್ಲಿ ತೆಗೆದುಕೊಂಡಿರುವ ಕಾಮಗಾರಿಗಳು ಯಾವುವು ; (ತಾಲ್ಲೂಕುವಾರು ಸಂಪೂರ್ಣ ಮಾಹಿತಿ ನೀಡುವುದು)

(ಇ) ತುಮಕೂರು ಜಿಲ್ಲೆಯ ಪ್ರವಾಸೋದ್ಯಮ ಅಭಿವೃದ್ಧಿಗೆ ಪ್ರಸ್ತಾವನೆಗಳನ್ನು ಜಿಲ್ಲಾಡಳಿತದಿಂದ ಸರ್ಕಾರಕ್ಕೆ ಸಲ್ಲಿಸಲಾಗಿದೆಯೇ; ಈ ಪ್ರಸ್ತಾವನೆಗಳ ಬಗ್ಗೆ ಸರ್ಕಾರವು ತೆಗೆದುಕೊಂಡಿರುವ ಕ್ರಮಗಳೇನು ;

(ಈ) 2020-21ನೇ ಸಾಲಿನಲ್ಲಿ ತುಮಕೂರು ಜಿಲ್ಲೆಯ ಪ್ರವಾಸೋದ್ಯಮ ಅಭಿವೃದ್ಧಿಗೆ ಬಂದಿರುವ ಪ್ರಸ್ತಾವನೆಗಳೆಷ್ಟು ? (ವಿಧಾನಸಭಾ ಕ್ಷೇತ್ರವಾರು ಸಂಪೂರ್ಣ ಮಾಹಿತಿ ನೀಡುವುದು)